ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೊಂದನೆಯ ಅಧಿವೇಶನ

ಸೋಮವಾರ, ದಿನಾಂಕ : 28 ನೇ ಸೆಪ್ಟೆಂಬರ್, 2020

ವಿಶ್ವ ವಿದ್ಯಾಲಯದಲ್ಲಿ ಬೋದಿಸುವ ಪ್ರಾಧ್ಯಪಕರ ಗುಣಮಟ್ಟದ ಬಗ್ಗೆ

ಶ್ರೀ ನಸೀರ್ ಅಹ್ಮದ್ (ವಿಧಾನಸಭೆಯಿಂದ ಚುನಾಯಿತರಾದವರು):-

804 (988) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ, ಜೈವಿಕ ತಂತ್ರಜ್ಞಾನ ಹಾಗೂ ವಿಜ್ಞಾನ ಮತ್ತು ತಂತ್ರಜ್ಞಾನ, ಕೌಶಲ್ಯಾಭಿವೃದ್ಧಿ, ಉದ್ಯಮಶೀಲತೆ ಮತ್ತು ಜೀವನೋಪಾಯ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ರಾಜ್ಯದ ವಿಶ್ವವಿದ್ಯಾಲಯಗಳಲ್ಲಿರುವ ಬಹುಪಾಲು ಉಪನ್ಯಾಸಕರುಗಳ ಗುಣಮಟ್ಟ ಕಳಪೆಯಾಗಿರುವುದು ನಿಜವೇ;

(ಆ) ನಿಜವಾದಲ್ಲಿ ಗುಣಮಟ್ಟ ಹೆಚ್ಚಿಸಲು ಕೈಗೊಂಡಿರುವ ಕ್ರಮಗಳೇನು;

(ಇ) ಗುಣಮಟ್ಟ ಕಳಪೆಯಾದ ಉಪನ್ಯಾಸಕರನ್ನು ಪ್ರಥಮ ದರ್ಜೆ ಕಾಲೇಜುಗಳಿಗೆ ವರ್ಗಾಯಿಸಿ ಪ್ರಥಮ ದರ್ಜೆ ಕಾಲೇಜುಗಳಲ್ಲಿರುವ ಉತ್ತಮ ಗುಣಮಟ್ಟದ ಉಪನ್ಯಾಸಕರನ್ನು ಸ್ನಾತಕೋತ್ತರ ಕೇಂದ್ರಗಳಿಗೆ, ವಿಶ್ವವಿದ್ಯಾಲಯಗಳಿಗೆ ವರ್ಗಾಯಿಸಲು ಇರುವ ಸಮಸ್ಯೆಗಳೇನು ;

(ಈ) ಯು.ಜಿ.ಸಿ. ನಿಯಮಗಳು ಅಡ್ಡಿಯಾಗವುದಾದರೆ ಅವುಗಳನ್ನು ತಿದ್ದುಪಡಿ ಮಾಡಿ ಸರಿಪಡಿಸಬಾರದೇಕೆ ;

(ಉ) ಯಾವಾಗ ಈ ಸಮಸ್ಯೆಯನ್ನು ಬಗೆಹರಿಸಲಾಗುವುದು ?